ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ಪದವಿ ಪೂರ್ವ ಕಾಲೇಜುಗಳಲ್ಲಿ ಮೂಲಭೂತ ಸೌಲಭ್ಯಗಳ ಹಾಗೂ ಲ್ಯಾಬ್‌ಗಳ ಕೊರತೆ ಕುರಿತು,

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

970 (1193) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೆಳಗಾವಿ ಜಿಲ್ಲೆಯ ಹಲವಾರು ಸರ್ಕಾರಿ ಪದವಿ ಪೂರ್ವ ಕಾಲೇಜುಗಳಲ್ಲಿ ವಿಜ್ಞಾನ ವಿಭಾಗಕ್ಕೆ ಬೇಕಾದ ಅಗತ್ಯ ಲ್ಯಾಬ್‌ಗಳ ಕೊರತೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಈ ಕೊರತೆಯನ್ನು ನೀಗಿಸಲು ಸರ್ಕಾರ ಯಾವ ಕ್ರಮಗಳನ್ನು ಕೈಗೊಂಡಿದೆ ;

(ಇ) ಬೆಳಗಾವಿ ಜಿಲ್ಲೆಯಲ್ಲಿ ಒಟ್ಟು ಎಷ್ಟು ಸರ್ಕಾರಿ ಪದವಿ ಪೂರ್ವ ಕಾಲೇಜುಗಳಿವೆ ; ವಿವಿಧ ಐಚ್ಛಿಕ ವಿಷಯಗಳಲ್ಲಿ ಅಭ್ಯಾಸ ಮಾಡುತ್ತಿರುವ ವಿದ್ಯಾರ್ಥಿಗಳ ಒಟ್ಟು ಸಂಖ್ಯೆ ಎಷ್ಟು; (ವಿಭಾಗವಾರು ಮಾಹಿತಿ ನೀಡುವುದು)

(ಈ) ವಿಜ್ಞಾನ ವಿಭಾಗದ ವಿದ್ಯಾರ್ಥಿಗಳಿಗೆ ಅಗತ್ಯ ಮೂಲಭೂತ ಸೌಲಭ್ಯಗಳಿಲ್ಲದೇ ಇರುವ ಸರ್ಕಾರಿ ಪದವಿ ಪೂರ್ವ ಕಾಲೇಜುಗಳ ಸಂಖ್ಯೆ ಎಷ್ಟು ;

(ಉ) ಸದರಿ ಮೂಲಭೂತ ಸೌಲಭ್ಯ ವಂಚಿತ ಸರ್ಕಾರಿ ಪದವಿ ಪೂರ್ವ ಕಾಲೇಜುಗಳಿಗೆ ಸುಸಜ್ಜಿತ ಮೂಲಭೂತ ಸೌಲಭ್ಯಗಳನ್ನು ಯಾವ ಕಾಲಮಿತಿಯಲ್ಲಿ ಒದಗಿಸಲಾಗುವುದು ? (ವಿವರ ನೀಡುವುದು)